## ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 441
ಸದಸ್ಯರ ಹೆಸರು : ಶ್ರೀ ಎಸ್.ಎಲ್. ಭೋಜೇಗೌಡ (ಶಿಕ್ಷಕರ ಕ್ಷೇತ್ರ)
ಉತ್ತರಿಸುವ ದಿನಾಂಕ : 18-02-2022.
ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ರಾಜ್ಯದ ಗ್ರಾಮ ಪಂಚಾಯಿತಿಗಳಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ಕಂಪ್ಯೂಟರ್ ಆಪರೇಟರ್ ಕರವಸೂಲಿಗಾರರು ಹಾಗೂ ಡಿ ಗ್ರೂಪ್ ನೌಕರರ ಮಾಸಿಕ ವೇತನವನ್ನು ಸರಿಯಾಗಿ ನೀಡಲಾಗುತ್ತಿದೆಯೇ; | ಕರ್ನಾಟಕ ಗ್ರಾಮ ಸ್ವರಾಜ್ ಮತ್ತು ಪಂಚಾಯತ್ ರಾಜ್ ಅಧಿನಿಯಮ, 1993 ರ ಪ್ರಕರಣ 113 ರಂತೆ ಗ್ರಾಮ ಪಂಚಾಯತಿಯ ಸಿಬ್ಬಂದಿಗಳ ವೇತನವನ್ನು ಗ್ರಾಮ ಪಂಚಾಯತಿ ನಿಧಿಯಿಂದ ಅಂದರೆ ಸ್ವಂತ ಸಂಪನ್ಮೂಲದಿಂದ ಪಾವತಿಸುವುದು, ಪ್ರತಿಯೊಂದು ಗ್ರಾಮ ಪಂಚಾಯತಿಯ ಕರ್ತವ್ಯವಾಗಿರುತ್ತದೆ.<br><br>ಆದಾಗ್ಯೂ ರಾಜ್ಯದ ಹಲವಾರು ಗ್ರಾಮ ಪಂಚಾಯತಿಗಳಲ್ಲಿ ಸಂಪನ್ಮೂಲದ ಕೊರತೆಯಿಂದ ಸಮಯಕ್ಕೆ ಸರಿಯಾಗಿ ಸಿಬ್ಬಂದಿಗಳ ವೇತನ ಪಾವತಿಸದ ಕಾರಣ ಸರ್ಕಾರವು ಗ್ರಾಮ ಪಂಚಾಯತಿಗಳಿಗೆ ಬಿಡುಗಡೆ ಮಾಡುವ ಅನುದಾನದಲ್ಲಿ ಭಾಗಶಃ ವೇತನಕ್ಕಾಗಿ ಪ್ರತ್ಯೇಕ ಅನುದಾನವನ್ನು ಬಿಡುಗಡೆ ಮಾಡುತ್ತಿದೆ. |
| (ಆ) | ರಾಜ್ಯದ ಕೆಲವು ಗ್ರಾಮ ಪಂಚಾಯತ್‌ಗಳಲ್ಲಿ 3-4 ತಿಂಗಳಾದರೂ ವೇತನ ನೀಡದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಪ್ರಸ್ತುತ ರಾಜ್ಯದ ಗ್ರಾಮ ಪಂಚಾಯತಿಗಳಲ್ಲಿ 1) ಬಿಲ್ ಕಲೆಕ್ಟರ್, 2) ಕ್ಲರ್ಕ್ ಕಂ ಡಾಟಾ ಎಂಟ್ರಿ ಆಪರೇಟರ್ / ಡಾಟಾ ಎಂಟ್ರಿ ಆಪರೇಟರ್, 3) ವಾಟರ್ ಆಪರೇಟರ್, 4) ಅಟೆಂಡೆಂಟ್ ಮತ್ತು 5) ಕ್ಲೀನರ್ಸ್ ಸೇರಿದಂತೆ ಸಿಬ್ಬಂದಿಗಳ ವೇತನಕ್ಕಾಗಿ ವಾರ್ಷಿಕವಾಗಿ ಒಟ್ಟು ರೂ.820.27 ಕೋಟಿ ಅನುದಾನದ ಅವಶ್ಯಕತೆ ಇದ್ದು, ಇದರಲ್ಲಿ ರೂ. 511.20 ಕೋಟಿಗಳನ್ನು ಸರ್ಕಾರದಿಂದ ತ್ರೈಮಾಸಿಕವಾಗಿ 4 ಕಂತುಗಳಲ್ಲಿ ಬಿಡುಗಡೆ ಮಾಡಲಾಗುತ್ತಿದೆ. |
| (ಇ) | ಹಾಗಿದ್ದಲ್ಲಿ ಈ ಸಮಸ್ಯೆ ಬಗೆಹರಿಸಲು ಸರ್ಕಾರ ಕೈಗೊಂಡ ಕ್ರಮಗಳೇನು; (ವಿವರ ನೀಡುವುದು) | ವೇತನಕ್ಕಾಗಿ ಕೊರತೆಯಾಗುವ ರೂ.309.07 ಕೋಟಿಗಳಲ್ಲಿ ಮಹಾತ್ಮ ಗಾಂಧಿ ರಾಷ್ಟ್ರೀಯ ಗ್ರಾಮೀಣ ಉದ್ಯೋಗ ಖಾತರಿ ಯೋಜನೆಯ ಕಾರ್ಯಕ್ರಮದ ಸೇವೆ ನೀಡುವವರಿಗೆ ಸದರಿ ಯೋಜನೆಯಡಿ ರೂ. 61.50 ಕೋಟಿಗಳನ್ನು ವಾರ್ಷಿಕವಾಗಿ 2 ಕಂತುಗಳಲ್ಲಿ ಬಿಡುಗಡೆ ಮಾಡಲಾಗುತ್ತದೆ.<br><br>15ನೇ ಹಣಕಾಸು ಆಯೋಗದ ಅನುದಾನದಡಿಯಲ್ಲಿ ಕುಡಿಯುವ ನೀರು ನಿರ್ವಹಣೆ, ನೈರ್ಮಲ್ಯ ಕಾಪಾಡುವ ಕಾರ್ಯಕ್ರಮಗಳಿಗೆ ಅನುದಾನವನ್ನು ಮೀಸಲಿರಿಸಲಾಗಿದ್ದು, ಕುಡಿಯುವ ನೀರು ಸರಬರಾಜು ಮತ್ತು ಸ್ವಚ್ಛತೆ ಸೇವೆ ನೀಡುವವರಿಗೆ 15ನೇ ಹಣಕಾಸು ಆಯೋಗದ ಅನುದಾನದಡಿ ರೂ.208.05 ಕೋಟಿಗಳ ಅನುದಾನ ಮತ್ತು ಸ್ವಂತ ಸಂಪನ್ಮೂಲದಲ್ಲಿ 101.02 ಕೋಟಿಗಳನ್ನು ಗ್ರಾಮ ಪಂಚಾಯತಿಗಳು ಸಿಬ್ಬಂದಿಗಳ ವೇತನಕ್ಕಾಗಿ ಭರಿಸಲು ಅನುದಾನವನ್ನು ವರ್ಗಾವಣೆ ಮಾಡಿಕೊಂಡು ಸಿಬ್ಬಂದಿಗಳ ವೇತನ ಭರಿಸಲು ಕ್ರಮ ಕೈಗೊಳ್ಳುವಂತೆ ಗ್ರಾಮ ಪಂಚಾಯತಿಗಳಿಗೆ |

| | | |
|---|---|---|
| | | ನಿರ್ದೇಶನ ನೀಡಲಾಗಿದೆ.<br><br>ರಾಜ್ಯದ ಕೆಲವು ಗ್ರಾಮ ಪಂಚಾಯತಿಗಳಲ್ಲಿ 3-4 ತಿಂಗಳುಗಳಿಂದ ನೌಕರರಿಗೆ ವೇತನ ನೀಡದಿರುವುದು ಸರ್ಕಾರದ ಗಮನಕ್ಕೆ ಬಂದಿದೆ.<br><br>ಪ್ರಸ್ತುತ ಗ್ರಾಮ ಪಂಚಾಯತಿ ನೌಕರರ ವೇತನಕ್ಕಾಗಿ 2021-22ನೇ ಸಾಲಿನಲ್ಲಿ ರೂ. 383.40 ಕೋಟಿಗಳನ್ನು ಸರ್ಕಾರದಿಂದ ತ್ರೈಮಾಸಿಕವಾಗಿ 3 ಕಂತುಗಳಲ್ಲಿ ಬಿಡುಗಡೆ ಮಾಡಲಾಗಿದೆ. |
| (ಈ) | ಈ ಗ್ರಾಮ ಪಂಚಾಯತ್ ಸಿಬ್ಬಂದಿಗಳಿಗೆ ಭವಿಷ್ಯ ನಿಧಿ (ಪಿ.ಎಫ್.) ಇ.ಎಸ್.ಐ., ಸೌಲಭ್ಯಗಳನ್ನು ನೀಡಲಾಗುತ್ತಿದೆಯೇ; ಇಲ್ಲವಾದಲ್ಲಿ ಈ ಸೌಲಭ್ಯಗಳನ್ನು ನೀಡಲು ಸರ್ಕಾರ ಕೈಗೊಂಡ ಕ್ರಮಗಳೇನು? (ವಿವರ ಒದಗಿಸುವುದು) | ಗ್ರಾಮ ಪಂಚಾಯತಿ ಸಿಬ್ಬಂದಿಗಳಿಗೆ ಭವಿಷ್ಯ ನಿಧಿ ಸೌಲಭ್ಯವನ್ನು ಕಲ್ಪಿಸಲು ಗ್ರಾಮ ಪಂಚಾಯತಿಗಳಿಗೆ ನಿರ್ದೇಶನ ನೀಡಲಾಗಿದೆ. ಇ.ಎಸ್.ಐ. ಸೌಲಭ್ಯವನ್ನು ನೀಡಲಾಗುತ್ತಿಲ್ಲ. |

ಸಂ. ಗ್ರಾಅಪ 37 ಗ್ರಾಪಂಅ 2022

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.

ಕೆ.ಎಸ್. ಈಶ್ವರಪ್ಪ
ಗ್ರಾಮೀಣಾಭಿವೃದ್ಧಿ ಮತ್ತು
ಪಂಚಾಯತ್ ರಾಜ್ ಸಚಿವರು